ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 02ನೇ ಮಾರ್ಚ್, 2020

ಕರ್ನಾಟಕ ವೈದ್ಯಕೀಯ ವಿಜ್ಞಾನ ಸಂಸ್ಥೆ ಹುಬ್ಬಳ್ಳಿ ಕುರಿತು

ಶ್ರೀ ಬಸವರಾಜ ಶಿವಲಿಂಗಪ್ಪ ಹೊರಟ್ಟಿ (ಶಿಕ್ಷಕರ ಕ್ಷೇತ್ರ):-

09 (22) ಮಾನ್ಯ ವೈದ್ಯಕೀಯ ಶಿಕ್ಷಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದಲ್ಲಿ ಎಷ್ಟು ವೈದ್ಯಕೀಯ ವಿಜ್ಞಾನ ಸಂಸ್ಥೆಗಳಿವೆ; ಕಳೆದ ಮೂರು ವರ್ಷಗಳಲ್ಲಿ ಒಳ ಮತ್ತು ಹೊರ ರೋಗಿಗಳ ಸಂಖ್ಯೆ ಎಷ್ಟು;

(ಆ) ಹುಬ್ಬಳ್ಳಿಯ ಕರ್ನಾಟಕ ವೈದ್ಯಕೀಯ ವಿಜ್ಞಾನ ಸಂಸ್ಥೆಯು ಪ್ರಸ್ತುತ ಎಷ್ಟು ಹಾಸಿಗೆ ಸೌಲಭ್ಯವನ್ನು ಹೊಂದಿದೆ; (ಚಿಕಿತ್ಸೆ ಪಡೆಯಲು ಬರುವ ರೋಗಿಗಳು ಯಾವ ಯಾವ ಜಿಲ್ಲೆಗೆ ಸಂಬಂಧಿಸಿದವರು ಎಂಬ ಬಗೆಗಿನ ಸಂಖ್ಯಾ ಮಾಹಿತಿ ನೀಡುವುದು)

(ಇ) ಹುಬ್ಬಳ್ಳಿಯ ಕೆ.ಎಂ.ಸಿ.ಗೆ ಒಳ ಮತ್ತು ಹೊರ ರೋಗಿಗಳ ಸಂಖ್ಯೆ ಹೆಚ್ಚಿಗೆ ಇದ್ದು, ರೋಗಿಗಳು ಬೆಡ್‌ಗಳಿಲ್ಲದೆ; ಐ.ಸಿ.ಯು ಇಲ್ಲದೇ ಪರದಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರವು ಯಾವ ಸೌಕರ್ಯಗಳನ್ನು ಎಷ್ಟು ಬೆಡ್‌ಗಳಿಗೆ ವಿಸ್ತರಿಸುವ ಬಗ್ಗೆ ಕ್ರಮ ವಹಿಸುವುದು;

(ಈ) ರಾಜ್ಯದ ಇತರೆ ವೈದ್ಯಕೀಯ ವಿಜ್ಞಾನ ಸಂಸ್ಥೆಗಳಲ್ಲಿ ಒಳ-ಹೊರ ರೋಗಿಗಳ ಸಂಖ್ಯೆ ಕಡಿಮೆ ಇದ್ದರೂ, ಹೆಚ್ಚಿನ ಅನುದಾನ ನೀಡಿ, ಹೆಚ್ಚಿನ ರೋಗಿಗಳಿರು ವ ಹುಬ್ಬಳ್ಳಿಯ ಕರ್ನಾಟಕ ವೈದ್ಯಕೀಯ ವಿಜ್ಞಾನ ಸಂಸ್ಥೆಗೆ ಕಡಿಮೆ ಅನುದಾನ ನೀಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಉ) ಬಂದಿದ್ದಲ್ಲಿ, ಇದನ್ನು ಸರಿಪಡಿಸಲು ಸರ್ಕಾರ ಯಾವ ಕ್ರಮ ಕೈಗೊಳ್ಳುವುದು?